# ಕರ್ನಾಟಕ ವಿಧಾನ ಪರಿಷತ್ತು

ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ : 1612

ಸದಸ್ಯರ ಹೆಸರು : ಡಾ: ಚಂದ್ರಶೇಖರ್ ಬಿ. ಪಾಟೀಲ್ (ಪದವೀಧರರ ಕ್ಷೇತ್ರ)

ಉತ್ತರಿಸುವ ದಿನಾಂಕ : 11-03-2022.

ಉತ್ತರಿಸುವವರು : ಮಾನ್ಯ ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ ಸಚಿವರು.

| ಕ್ರ.ಸಂ | ಪ್ರಶ್ನೆ | ಉತ್ತರ |
|---|---|---|
| (ಅ) | ಕಲ್ಯಾಣ ಕರ್ನಾಟಕ ಭಾಗದ ಗ್ರಾಮ ಪಂಚಾಯಿತಿಗಳಲ್ಲಿ ಬಹಳಷ್ಟು ಹುದ್ದೆಗಳು ಖಾಲಿಯಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; | ಬಂದಿದೆ. |
| (ಆ) | ಬಂದಿದ್ದಲ್ಲಿ, ಸದರಿ ಹುದ್ದೆಗಳನ್ನು ಭರ್ತಿ ಮಾಡಲು ಸರ್ಕಾರ ಕೈಗೊಂಡ ಕ್ರಮವೇನು; ಖಾಲಿ ಹುದ್ದೆಗಳನ್ನು ಭರ್ತಿ ಮಾಡಲು ವಿಳಂಬ ಧೋರಣೆ ಮಾಡುತ್ತಿರುವುದು ಕಲ್ಯಾಣ ಕರ್ನಾಟಕಕ್ಕೆ ಮಾಡುತ್ತಿರುವುದು ಅನ್ಯಾಯವಲ್ಲವೆ? | ಪಂಚಾಯತಿ ಅಭಿವೃದ್ಧಿ ಅಧಿಕಾರಿ ವೃಂದಕ್ಕೆ ಜಿಲ್ಲಾ ಪಂಚಾಯತಿಗಳ ಮುಖ್ಯ ಕಾರ್ಯನಿರ್ವಾಹಕ ಅಧಿಕಾರಿ ನೇಮಕಾತಿ ಪ್ರಾಧಿಕಾರ ಆಗಿದ್ದು ಗ್ರಾಮ ಪಂಚಾಯತಿ ಕಾರ್ಯದರ್ಶಿ ಗ್ರೇಡ್-1 ವೃಂದದ ಅರ್ಹ ನೌಕರರು ಲಭ್ಯವಾದಂತೆ ಜೇಷ್ಠತೆ ಮತ್ತು ಅರ್ಹತೆ ಆಧಾರದ ಮೇಲೆ ಮುಂಬಡ್ತಿ ಮೂಲಕ ಭರ್ತಿ ಮಾಡಲು ಮತ್ತು ಗ್ರಾಮ ಪಂಚಾಯಿತಿ ಕಾರ್ಯದರ್ಶಿ ಗ್ರೇಡ್-1 ಮತ್ತು ಗ್ರೇಡ್-2 ಹಾಗೂ ದ್ವಿತೀಯ ದರ್ಜೆ ಲೆಕ್ಕ ಸಹಾಯಕ ವೃಂದಕ್ಕೆ ಜಿಲ್ಲಾ ಪಂಚಾಯಿತಿಗಳ ಉಪ ಕಾರ್ಯದರ್ಶಿ (ಅಭಿವೃದ್ಧಿ) ರವರು ನೇಮಕಾತಿ ಪ್ರಾಧಿಕಾರ ಆಗಿದ್ದು, ಸದರಿ ಹುದ್ದೆಗಳನ್ನು ಭರ್ತಿ ಮಾಡಲು ಸರ್ಕಾರದಿಂದ ಎಲ್ಲಾ ಜಿಲ್ಲಾ ಪಂಚಾಯತಿಗಳ ಮುಖ್ಯ ಕಾರ್ಯನಿರ್ವಾಹಕ ಅಧಿಕಾರಿಗಳಿಗೆ ನಿರ್ದೇಶನ ನೀಡಲಾಗಿದೆ.<br><br>ಗ್ರಾಮ ಪಂಚಾಯತಿ ಕಾರ್ಯದರ್ಶಿ ಗ್ರೇಡ್-2 ವೃಂದದ ಹೈದರಾಬಾದ್ ಕರ್ನಾಟಕ ಪ್ರದೇಶವನ್ನು ಹೊರತುಪಡಿಸಿದ 263 ಹುದ್ದೆಗಳು ಮತ್ತು ಹೈದರಾಬಾದ್ ಕರ್ನಾಟಕ ಪ್ರದೇಶದ 80 ಹುದ್ದೆಗಳು ಸೇರಿದಂತೆ ಒಟ್ಟು 343 ಹುದ್ದೆಗಳಿಗೆ ನೇರ ನೇಮಕಾತಿ ಮಾಡಲು ಮತ್ತು ದ್ವಿತೀಯ ದರ್ಜೆ ಲೆಕ್ಕ ಸಹಾಯಕ ವೃಂದದ ಹೈದರಾಬಾದ್ ಕರ್ನಾಟಕ ಪ್ರದೇಶವನ್ನು ಹೊರತುಪಡಿಸಿದ 55 ಹುದ್ದೆಗಳು ಮತ್ತು ಹೈದರಾಬಾದ್ ಕರ್ನಾಟಕ ಪ್ರದೇಶದ 103 ಹುದ್ದೆಗಳು ಸೇರಿದಂತೆ ಒಟ್ಟು 158 ಹುದ್ದೆಗಳಿಗೆ ನೇರ ನೇಮಕಾತಿ ಮಾಡಲು ಉದ್ದೇಶಿಸಲಾಗಿದೆ. |

ಸಂ. ಗ್ರಾಅಪ 98 ಗ್ರಾಪಂಅ 2022

(ಕೆ.ಎಸ್. ಈಶ್ವರಪ್ಪ)
ಗ್ರಾಮೀಣಾಭಿವೃದ್ಧಿ ಮತ್ತು ಪಂ.ರಾಜ್ ಸಚಿವರು.